693596

## ಕರ್ನಾಟಕ ವಿಧಾನ ಪರಿಷತ್ತು

1. ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ : 2063
2. ಸದಸ್ಯರ ಹೆಸರು : ಶ್ರೀಮತಿ ಭಾರತಿ ಶೆಟ್ಟಿ (ನಾಮನಿರ್ದೇಶನ ಹೊಂದಿದವರು)
3. ಉತ್ತರಿಸುವ ದಿನಾಂಕ : 17.03.2022
4. ಉತ್ತರಿಸುವ ಸಚಿವರು : ಮುಖ್ಯಮಂತ್ರಿ

| ಕ್ರ. ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದ ಸರ್ಕಾರಿ ನೌಕರರಿಗೆ ಹಾಗೂ ಅಧಿಕಾರಿಗಳಿಗೆ ಯಾವ ರೀತಿ ನಗದು ರಹಿತ ವೈದ್ಯಕೀಯ ಸೌಲಭ್ಯವನು ಸರ್ಕಾರ ನೀಡಿದೆ; (ಸಂಪೂರ್ಣ ಮಾಹಿತಿ ಒದಗಿಸುವುದು) | ರಾಜ್ಯ ಸರ್ಕಾರಿ ನೌಕರರು ಮತ್ತು ಅವರ ಕುಟುಂಬದ ಅವಲಂಬಿತ ಸದಸ್ಯರಿಗೆ ಜ್ಯೋತಿ ಸಂಜೀವಿನಿ ಯೋಜನೆಯಡಿ 2015 ರಿಂದ ನಗದು ರಹಿತ ಚಿಕಿತ್ಸೆಯನ್ನು ನೀಡಲಾಗುತ್ತಿದೆ.<br><br>ಏಳು ಗಂಭೀರ ಹಾಗೂ ಮಾರಣಾಂತಿಕ ಕಾಯಿಲೆಗಳಿಗೆ (ಹೃದ್ರೋಗ, ನರರೋಗ, ಕ್ಯಾನ್ಸರ್, ಮೂತ್ರಪಿಂಡ ರೋಗ, ಸುಟ್ಟಗಾಯ, ಅಪಘಾತ, ನವಜಾತ ಶಿಶು ಹಾಗೂ ಚಿಕ್ಕ ಮಕ್ಕಳ ಕಾಯಿಲೆಗಳಿಗೆ) ಸಂಬಂಧಿಸಿದಂತೆ ಗುರುತಿಸಲಾದ ವಿವಿಧ ಶಸ್ತ್ರ ಚಿಕಿತ್ಸೆ/ ಚಿಕಿತ್ಸೆಗಳನ್ನು ನಗದು ರಹಿತವಾಗಿ ಒದಗಿಸಲು ಈ ಯೋಜನೆಯಡಿ ಸೌಲಭ್ಯವನ್ನು ಕಲ್ಪಿಸಲಾಗಿದೆ. |
| ಆ) | ಸರ್ಕಾರಿ ನೌಕರರು ಮತ್ತು ಅಧಿಕಾರಿಗಳು ನಿವೃತ್ತರಾದ ಮೇಲೆ ಹಲವು ರೀತಿಯ ವಯೋ ಸಹಜ ಕಾಯಿಲೆಗಳಿಗೆ ತುತ್ತಾಗುವುದು ಸಹಜ, ಹಾಗಾಗಿ ಸದರಿ ವರ್ಗಕ್ಕೆ ನಿವೃತ್ತಿ ನಂತರವು ನಗದು ರಹಿತ ಸೌಲಭ್ಯವನ್ನು ವಿಸ್ತರಿಸುವ ಬಗ್ಗೆ ಸರ್ಕಾರ ಕೈಗೊಂಡ ಕ್ರಮಗಳೇನು: | ಪ್ರಸ್ತುತ ನಿವೃತ್ತ ಸರ್ಕಾರಿ ನೌಕರರು ಕರ್ನಾಟಕ ಸರ್ಕಾರಿ ಪಿಂಚಣಿದಾರರ (ವೈದ್ಯಕೀಯ ಹಾಜರಾತಿ) ನಿಯಮಗಳು, 1969ರನ್ವಯ ಸರ್ಕಾರಿ ಆಸ್ಪತ್ರೆಗಳಲ್ಲಿ ಲಭ್ಯವಿರುವ ವೈದ್ಯಕೀಯ ಚಿಕಿತ್ಸೆಗಳನ್ನು ಉಚಿತವಾಗಿ ಪಡೆಯಲು ಅವಕಾಶವಿರುತ್ತದೆ.<br><br>ಜ್ಯೋತಿ ಸಂಜೀವಿನಿ ಯೋಜನೆಯನ್ನು ನಿವೃತ್ತ ಸರ್ಕಾರಿ ನೌಕರರಿಗೆ ವಿಸ್ತರಿಸಿರುವುದಿಲ್ಲ. |
| ಇ) | ಪ್ರಸ್ತುತ ಸದರಿ ಸೌಲಭ್ಯ ಇಲ್ಲದಿದ್ದಲ್ಲಿ, ಈ ಕುರಿತು ಸರ್ಕಾರ ಯಾವ ರೀತಿ ಕ್ರಮ ಕೈಗೊಳ್ಳಲಿದೆ? (ಮಾಹಿತಿ ಒದಗಿಸುವುದು) | ನಿವೃತ್ತ ಸರ್ಕಾರಿ ನೌಕರರಿಗೆ ವೈದ್ಯಕೀಯ ಸೌಲಭ್ಯ ಕಲ್ಪಿಸುವ ಪ್ರಸ್ತಾವನೆಯು ಸರ್ಕಾರದ ಪರಿಶೀಲನೆಯಲ್ಲಿರುತ್ತದೆ. |

e-ಕಡತ ಸಂಖ್ಯೆ: DPAR/41/SMR/2022

(ಬಸವರಾಜ ಬೊಮ್ಮಾಯಿ)
ಮುಖ್ಯಮಂತ್ರಿ